# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 811

ವಿಧಾನ ಪರಿಷತ್ತು ಸದಸ್ಯರ ಹೆಸರು : ಶ್ರೀ ಪ್ರಕಾಶ್ ಕೆ. ರಾಥೋಡ್ (ನಾಮನಿರ್ದೇಶನ ಹೊಂದಿದವರು)

ಉತ್ತರಿಸಬೇಕಾದ ದಿನಾಂಕ : 09.03.2021

ಉತ್ತರಿಸುವ ಸಚಿವರು : ಆಹಾರ, ನಾಗರಿಕ ಸರಬರಾಜು ಮತ್ತು ಗ್ರಾಹಕರ ವ್ಯವಹಾರಗಳ ಹಾಗೂ ಕಾನೂನು ಮಾಪನಶಾಸ್ತ್ರ ಇಲಾಖಾ ಸಚಿವರು.

| ಕ್ರ. ಸಂ | ಪ್ರಶ್ನೆ | ಉತ್ತರ |
|---|---|---|
| ಅ | ರಾಜ್ಯದಲ್ಲಿರುವ ಬಿ.ಪಿ.ಎಲ್ ಕಾರ್ಡ್‌ದಾರರ ಸಂಖ್ಯೆ ಎಷ್ಟು; | ರಾಜ್ಯದಲ್ಲಿರುವ ಬಿ.ಪಿ.ಎಲ್(ಅಂತ್ಯೋದಯ ಅನ್ನ + ಆದ್ಯತಾ ಪಡಿತರ ಚೀಟಿ) ವಿವರ.<br><br>ಅಂತ್ಯೋದಯ ಅನ್ನ ಯೋಜನೆ ಪಡಿತರ ಚೀಟಿ: 1090951<br>ಆದ್ಯತಾ ಪಡಿತರ ಚೀಟಿ: 11683545<br>ಒಟ್ಟು: 12774496 |
| ಆ | ಬಿ.ಪಿ.ಎಲ್ ಕಾರ್ಡ್ ಪಡೆಯಲು ಇರುವ ಮಾನದಂಡಗಳೇನು; | ಬಿಪಿಎಲ್ ಕುಟುಂಬಗಳನ್ನು ಗುರುತಿಸುವ ಸಲುವಾಗಿ ರಾಜ್ಯ ಸರ್ಕಾರವು 16-08-2016, 25-03-2017 ಹಾಗೂ 20-5-2017 ರ ಆದೇಶದಲ್ಲಿ ಬಿಪಿಎಲ್ ವರ್ಗಕ್ಕೆ ಒಳಪಡದ (Exclusion Criteria) 04 ಮಾನದಂಡಗಳನ್ನು ಗುರುತಿಸಿ ಆದೇಶಿಸಿರುತ್ತದೆ. ಕೆಳಗಿನ ಈ 04 ಮಾನದಂಡಗಳಿಗೆ ಒಳಪಡದವರು ಬಿಪಿಎಲ್ ಪಡಿತರ ಚೀಟಿ ಪಡೆಯಲು ಅರ್ಹರಿರುತ್ತಾರೆ.<br>1. ಎಲ್ಲಾ ಖಾಯಂ ನೌಕರರು ಅಂದರೆ ಸರ್ಕಾರದ ಅಥವಾ ಸರ್ಕಾರದಿಂದ ಅನುದಾನವನ್ನು ಪಡೆಯುತ್ತಿರುವ ಸಂಸ್ಥೆಗಳು ಅಥವಾ ಸರ್ಕಾರಿ ಪ್ರಾಯೋಜಿತ ಸರ್ಕಾರಿ ಸ್ವಾಮ್ಯದ ಸಂಸ್ಥೆಗಳು/ ಮಂಡಳಿಗಳು/ ನಿಗಮಗಳು/ಸ್ವಾಯತ್ತ ಸಂಸ್ಥೆಗಳು ಇತ್ಯಾದಿ ಒಳಗೊಂಡಂತೆ ಆದಾಯ ತೆರಿಗೆ/ಸೇವಾ ತೆರಿಗೆ/ವ್ಯಾಟ್/ವೃತ್ತಿ ತೆರಿಗೆ ಪಾವತಿಸುವ ಎಲ್ಲಾ ಕುಟುಂಬಗಳು.<br>2. ಗ್ರಾಮೀಣ ಪ್ರದೇಶದಲ್ಲಿ 3 ಹೆಕ್ಟೇರ್ ಒಣಭೂಮಿ ಅಥವಾ ತತ್ಸಮಾನ ನೀರಾವರಿ ಭೂಮಿ ಹೊಂದಿರುವ ಕುಟುಂಬಗಳು ಅಥವಾ ಗ್ರಾಮೀಣ ಪ್ರದೇಶದಲ್ಲಿ, ಹೊರತುಪಡಿಸಿ ನಗರ ಪ್ರದೇಶಗಳಲ್ಲಿ 1000 ಚದರ ಅಡಿಗಿಂತಲೂ ಹೆಚ್ಚಿನ ವಿಸ್ತೀರ್ಣದ ಪಕ್ಕಾ ಮನೆಯನ್ನು ಸ್ವಂತವಾಗಿ ಹೊಂದಿರುವ ಕುಟುಂಬಗಳು.<br>3.ಜೀವನೋಪಾಯಕ್ಕಾಗಿ ಸ್ವತಃ ಓಡಿಸುವ ವಾಣಿಜ್ಯ ವಾಹನವನ್ನು ಅಂದರೆ ಟ್ರ್ಯಾಕ್ಟರ್, ಮಾಕ್ಸಿಕ್ಯಾಬ್, ಟ್ಯಾಕ್ಸಿ ಇತ್ಯಾದಿಗಳನ್ನು ಹೊಂದಿದ ಕುಟುಂಬಗಳನ್ನು ಹೊರತುಪಡಿಸಿ ನಾಲ್ಕು ಚಕ್ರದ ವಾಹನವನ್ನು ಹೊಂದಿರುವ ಎಲ್ಲಾ ಕುಟುಂಬಗಳು.<br>4. ಕುಟುಂಬದ ವಾರ್ಷಿಕ ಆದಾಯವು ರೂ.1.20 ಲಕ್ಷಗಿಂತ ಹೆಚ್ಚಿಗೆ ಇರುವ ಕುಟುಂಬಗಳು. |
| ಇ | ಸರ್ಕಾರವು ಪ್ರಸ್ತುತ ಚಾಲ್ತಿಯಿರುವ ಯಾವ ಯಾವ ಮಾನದಂಡಗಳನ್ನು ಬದಲಿಸಲಾಗುತ್ತಿದೆ? (ವಿವರ ಒದಗಿಸುವುದು) | ಇಂತಹ ಯಾವುದೇ ಪ್ರಸ್ತಾವನೆ ಇರುವುದಿಲ್ಲ. |

ಆನಾಸ 78 ಡಿಆರ್‌ಎ 2021 (ಇ-ಆಫೀಸ್)

(ಉಮೇಶ್ ವಿ. ಕತ್ತಿ)
ಆಹಾರ, ನಾಗರಿಕ ಸರಬರಾಜು ಮತ್ತು
ಗ್ರಾಹಕರ ವ್ಯವಹಾರಗಳ ಹಾಗೂ
ಕಾನೂನು ಮಾಪನಶಾಸ್ತ್ರ ಇಲಾಖಾ ಸಚಿವರು